ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 05 ನೇ ಫೆಬ್ರುವರಿ, 2021

ವಾಯುವ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆಯಲ್ಲಿ ಖಾಲಿಯಿರುವ ಹುದ್ದೆಗಳ ನೇಮಕಾತಿ ಕುರಿತು

ಶ್ರೀ ನಿರಾಣಿ ಹಣಮಂತ ರುದ್ರಪ್ಪ(ಪದವೀಧರರ ಕ್ಷೇತ್ರ) -

437 (520) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ವಾಯುವ್ಯ ಕರ್ನಾಟಕ ರಸ್ತೆ ಸಾರಿಗೆ ಸಂಸ್ಥೆ, ಹುಬ್ಬಳ್ಳಿ, ಈ ಸಂಸ್ಥೆಯ ಅಧೀನದ ಕಛೇರಿಗಳಲ್ಲಿ ಒಟ್ಟು ಮಂಜೂರಾದ ಹುದ್ದೆಗಳ ಸಂಖ್ಯೆ ಎಷ್ಟು; (ವೃಂದವಾರು ವಿವರ ನೀಡುವುದು)

(ಆ) ಅವುಗಳಲ್ಲಿ ಖಾಯಂ, ಗುತ್ತಿಗೆ ಆಧಾರದ ಮೇಲೆ ಮತ್ತು ದಿನಗೂಲಿ ಆಧಾರದ ಮೇಲೆ ಕಾರ್ಯನಿರ್ವಹಿಸುತ್ತಿರುವವರ ಸಂಖ್ಯೆ ಎಷ್ಟು;

(ಇ) ಪ್ರಸ್ತುತ ಖಾಲಿಯಿರುವ ಹುದ್ದೆಗಳ ಸಂಖ್ಯೆ ಎಷ್ಟು; (ವೃಂದವಾರು ವಿವರ ನೀಡುವುದು)

(ಈ) ಖಾಲಿಯಿರುವ ಹುದ್ದೆಗಳನ್ನು ನೇಮಕ ಮಾಡಿಕೊಳ್ಳಲು ಸರ್ಕಾರ ಕ್ರಮ ಕೈಗೊಂಡಿದೆಯೇ;

(ಉ) ಹಾಗಿದ್ದಲ್ಲಿ, ಸದರಿ ನೇಮಕಾತಿ ಪ್ರಕ್ರಿಯೆಗಳು ಪ್ರಸ್ತುತ ಯಾವ ಹಂತದಲ್ಲಿವೆ; ಮತ್ತು ಯಾವ ಕಾಲಮಿತಿಯಲ್ಲಿ ನೇಮಕಾತಿ ಪ್ರಕ್ರಿಯೆಗಳನ್ನು ಪೂರ್ಣಗೊಳಿಸಲಾಗುವುದು; ಇಲ್ಲವಾದಲ್ಲಿ, ನೇಮಕಾತಿ ಮಾಡಿಕೊಳ್ಳದಿರಲು ಕಾರಣಗಳೇನು?